# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಹದಿನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 13ನೇ ಜೂನ್, 2017

(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

### 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಏಳನೇ ಪಟ್ಟಿ

ಆ) **ತಡೆಹಿಡಿಯಲಾದ ಪ್ರಶ್ನೆಗಳು :-**

ದಿನಾಂಕ: 06.06.2017ರ 2ನೇ ಪಟ್ಟಿಯಿಂದ ತಡೆಹಿಡಿಯಲಾದ **ಶ್ರೀ ಎಸ್. ಚಿಕ್ಕಮಾದು** ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 29 (537) : ಮುಖ್ಯಮಂತ್ರಿಗಳು

ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಏಳನೇ ಪಟ್ಟಿ

### 2. ವರದಿಗಳನ್ನೊಪ್ಪಿಸುವುದು

**ಶ್ರೀ ಬಿ.ಆರ್. ಯಾವಗಲ್** (ಅಧ್ಯಕ್ಷರು, ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿ) ಅವರು – 2016–17ನೇ ಸಾಲಿನ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿಯ 20, 21 ಮತ್ತು 22ನೇ ವರದಿಗಳನ್ನು ಒಪ್ಪಿಸುವುದು.

. . . 2

## 3. ಶಾಸನ ರಚನೆ

### I. ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ವೈದ್ಯಾಧಿಕಾರಿಗಳು ಮತ್ತು ಇತರ ಸಿಬ್ಬಂದಿಯ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

**1. ಶ್ರೀ ಸಿದ್ದರಾಮಯ್ಯ (ಮುಖ್ಯ ಮಂತ್ರಿಗಳು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ಸರಕು ಮತ್ತು ಸೇವೆಗಳ ತೆರಿಗೆ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಸಿದ್ದರಾಮಯ್ಯ (ಮುಖ್ಯ ಮಂತ್ರಿಗಳು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ಮಾರಾಟಗಳ ತೆರಿಗೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

. . . 3

## 4. ವಿತ್ತೀಯ ಕಾರ್ಯಕಲಾಪಗಳು

2017-18ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮೇಲೆ ಮುಂದುವರೆದ ಚರ್ಚೆ :-

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 01 | ಕೃಷಿ ಮತ್ತು ತೋಟಗಾರಿಕೆ |
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 03 | ಆರ್ಥಿಕ |
| 04 | ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ |
| 05 | ಒಳಾಡಳಿತ ಮತ್ತು ಸಾರಿಗೆ |
| 06 | ಮೂಲಭೂತ ಸೌಕರ್ಯ ಅಭಿವೃದ್ಧಿ |
| 07 | ಗ್ರಾಮೀಣ ಅಭಿವೃದ್ಧಿ ಮತ್ತು ಪಂಚಾಯತಿ ರಾಜ್ |
| 08 | ಅರಣ್ಯ, ಜೀವಿ ಶಾಸ್ತ್ರ ಮತ್ತು ಪರಿಸರ |
| 09 | ಸಹಕಾರ |
| 10 | ಸಮಾಜ ಕಲ್ಯಾಣ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 12 | ವಾರ್ತಾ, ಪ್ರವಾಸೋದ್ಯಮ ಮತ್ತು ಯುವಜನ ಸೇವೆಗಳು |
| 13 | ಆಹಾರ ಮತ್ತು ನಾಗರೀಕ ಸರಬರಾಜು |
| 14 | ಕಂದಾಯ |
| 15 | ಮಾಹಿತಿ ತಂತ್ರಜ್ಞಾನ |
| 16 | ವಸತಿ |
| 17 | ಶಿಕ್ಷಣ |
| 18 | ವಾಣಿಜ್ಯ ಮತ್ತು ಕೈಗಾರಿಕೆ |
| 19 | ನಗರಾಭಿವೃದ್ಧಿ |
| 20 | ಲೋಕೋಪಯೋಗಿ |
| 21 | ಜಲ ಸಂಪನ್ಮೂಲ |
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |
| 23 | ಕಾರ್ಮಿಕ ಮತ್ತು ಕೌಶಲ್ಯ ಅಭಿವೃದ್ಧಿ |
| 24 | ಇಂಧನ |

. . . 4

| | |
|---|---|
| 25 | ಕನ್ನಡ ಮತ್ತು ಸಂಸ್ಕೃತಿ |
| 26 | ಯೋಜನೆ, ಸಾಂಖ್ಯಿಕ, ವಿಜ್ಞಾನ ಮತ್ತು ತಂತ್ರಜ್ಞಾನ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. **ಶ್ರೀಯುತರುಗಳಾದ ಕೆ.ಎಸ್. ಪುಟ್ಟಣ್ಣಯ್ಯ, ವಿಶ್ವೇಶ್ವರ ಹೆಗಡೆ ಕಾಗೇರಿ ಮತ್ತು ಗೋವಿಂದ ಎಂ. ಕಾರಜೋಳ** ಇವರುಗಳು – ರಾಜ್ಯದಲ್ಲಿನ ಕಬ್ಬು ಬೆಳೆಗಾರರ ಸಮಸ್ಯೆಗಳು ಮತ್ತು ಅವರುಗಳಿಗೆ ಆಗಿರುವ ಅನ್ಯಾಯದ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

2. **ಶ್ರೀಯುತರುಗಳಾದ ಲಕ್ಷ್ಮಣ ಸಂಗಪ್ಪ ಸವದಿ, ಡಿ.ಎನ್. ಜೀವರಾಜ್ ಮತ್ತು ಸಿ.ಟಿ. ರವಿ** ಇವರುಗಳು – ಶಿವಮೊಗ್ಗ ಜಿಲ್ಲಾ ಕೇಂದ್ರ ಸಹಕಾರಿ ಬ್ಯಾಂಕ್ ನಗರ ಶಾಖೆಯಲ್ಲಿ ನಡೆದಿರುವ ಅಕ್ರಮ ಹಾಗೂ ಅವ್ಯವಹಾರಗಳ ಪ್ರಕರಣಗಳನ್ನು ಸಿ.ಬಿ.ಐ.ಗೆ ವಹಿಸುವುದು ಹಾಗೂ ತಪ್ಪಿತಸ್ಥರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

3. **ಶ್ರೀಯುತರುಗಳಾದ ಎಂ. ರಾಜಣ್ಣ, ಎಂ. ಕೃಷ್ಣರೆಡ್ಡಿ ಮತ್ತು ಎಸ್.ಎನ್. ಸುಬ್ಬಾರೆಡ್ಡಿ** ಇವರುಗಳು – ಚಿಕ್ಕಬಳ್ಳಾಪುರ ಮತ್ತು ಕೋಲಾರ ಜಿಲ್ಲೆಗಳಿಗೆ ಎತ್ತಿನಹೊಳೆ ಯೋಜನೆಯಿಂದ ಶಾಶ್ವತ ಕುಡಿಯುವ ನೀರಿನ ಯೋಜನೆಯ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಗಮನ ಸೆಳೆಯುವ ಸೂಚನೆಗಳು

1. **ಶ್ರೀ ಜಗದೀಶ್ ಶೆಟ್ಟರ್** ಇವರು – ರಾಜ್ಯದಲ್ಲಿ ಬೆಳೆ ಹಾನಿಯಿಂದ ತೊಂದರೆಗೀಡಾಗಿರುವ ರೈತರ ಖಾತೆಗಳಿಗೆ ಬೆಳೆ ಹಾನಿ ಪರಿಹಾರವೆಂದು ಕೇವಲ ಒಂದು ರೂಪಾಯಿ ಜಮಾ ಮಾಡಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

2. **ಶ್ರೀ ಎಂ. ರಾಜಣ್ಣ** ಇವರು – ಚಿಕ್ಕಬಳ್ಳಾಪುರ ಜಿಲ್ಲೆಯ ಶಿಡ್ಲಘಟ್ಟ ವ್ಯಾಪ್ತಿಯಲ್ಲಿ ಸಣ್ಣ ನೀರಾವರಿ ಇಲಾಖೆಯಿಂದ ನಡೆಯುತ್ತಿರುವ ಕಳಪೆ ಕಾಮಗಾರಿಗಳಿಂದ ಸರ್ಕಾರದ ಬೊಕ್ಕಸಕ್ಕೆ ನಷ್ಟ ಉಂಟುಮಾಡುತ್ತಿರುವ ಅಧಿಕಾರಿಗಳು ಮತ್ತು ಗುತ್ತಿಗೆದಾರರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಸಣ್ಣ ನೀರಾವರಿ ಸಚಿವರ ಗಮನ ಸೆಳೆಯುವುದು.

. . . 5

3. **ಶ್ರೀ ಸಿ.ಟಿ. ರವಿ** ಇವರು – ರಾಜ್ಯದಲ್ಲಿ ಎಸ್.ಸಿ/ಎಸ್.ಟಿ ವಿದ್ಯಾರ್ಥಿಗಳಿಗೆ ಉಚಿತ ಬಸ್ ಪಾಸ್ ಭಾಗ್ಯವನ್ನು ನೀಡಿದಂತೆ ಎಲ್ಲಾ ವರ್ಗದ ಬಡ ಮಕ್ಕಳಿಗೆ ಈ ಯೋಜನೆಯನ್ನು ವಿಸ್ತರಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4. **ಶ್ರೀ ಯು.ಬಿ. ಬಣಕಾರ್** ಇವರು – ಹಾವೇರಿ ಜಿಲ್ಲೆಯಲ್ಲಿ ಏಪ್ರಿಲ್ ಮತ್ತು ಮೇ ತಿಂಗಳಿನಲ್ಲಿ ಭಾರಿ ಮಳೆಯಿಂದಾಗಿ ಹಾನಿಗೊಳಗಾದವರಿಗೆ ಪರಿಹಾರ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

5. **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಸಿ.ಎನ್. ಬಾಲಕೃಷ್ಣ, ಹೆಚ್.ಡಿ. ರೇವಣ್ಣ ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನ–ಮೈಸೂರು ರಸ್ತೆಯ ಮಧ್ಯದಲ್ಲಿರುವ ಹಂಗರಹಳ್ಳಿ ಗ್ರಾಮದ ಕಸ್ತೂರಿ ಬಾ ವಸತಿ ಶಾಲೆಯಲ್ಲಿ ಪದವಿ ಪೂರ್ವ ತರಗತಿಗಳನ್ನು ಆರಂಭಿಸಲು ಅವಶ್ಯಕ ಬೋಧಕ/ಬೋಧಕೇತರ ಸಿಬ್ಬಂದಿಯ ಹುದ್ದೆಗಳೊಂದಿಗೆ ಮಂಜೂರು ಮಾಡುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

6. **ಶ್ರೀ ಸಿ.ಎನ್. ಬಾಲಕೃಷ್ಣ ಮತ್ತು ಶ್ರೀ ಹೆಚ್.ಡಿ. ರೇವಣ್ಣ** ಇವರುಗಳು – ಚನ್ನರಾಯಪಟ್ಟಣ ತಾಲ್ಲೂಕಿನ ದಂಡಿಗನಹಳ್ಳಿ ಹೋಬಳಿ ಆನೇಕೆರೆ ಮತ್ತು ಇತರೆ 65 ಗ್ರಾಮಗಳಿಗೆ ಕುಡಿಯುವ ನೀರು ಸರಬರಾಜು ಯೋಜನೆಗೆ ಆಡಳಿತಾತ್ಮಕ ಅನುಮೋದನೆಯನ್ನು ನೀಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

7. **ಶ್ರೀ ಹೆಚ್.ಡಿ. ರೇವಣ್ಣ ಮತ್ತು ಶ್ರೀ ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನದ ಶಾಂತಿ ಗ್ರಾಮ ಹಾಗೂ ದುದ್ದ ಹೋಬಳಿಯ ಇತರೆ 195 ಗ್ರಾಮಗಳಿಗೆ ಕುಡಿಯುವ ನೀರು ಸರಬರಾಜು ಯೋಜನೆಗೆ ಆಡಳಿತಾತ್ಮಕ ಅನುಮೋದನೆಯನ್ನು ನೀಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

8. **ಶ್ರೀ ಕೆ.ಜಿ. ಬೋಪಯ್ಯ** ಇವರು – ಮಡಿಕೇರಿ ತಾಲ್ಲೂಕು ಭಾಗಮಂಡಲ ಗ್ರಾಮ ಪಂಚಾಯಿತಿ ವ್ಯಾಪ್ತಿಯಲ್ಲಿ ಕಸ ವಿಲೇವಾರಿ ಮಾಡಲು ಅಡ್ಡಿಪಡಿಸುತ್ತಿರುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

9. **ಶ್ರೀ ರಾಜ ವೆಂಕಟಪ್ಪ ನಾಯಕ** ಇವರು – ಸುರಪುರ ತಾಲ್ಲೂಕಿನಲ್ಲಿ ನಡೆದಿರುವ ವಸತಿ ಯೋಜನೆಗಳ ಅವ್ಯವಹಾರದಲ್ಲಿ ಭಾಗಿಯಾಗಿರುವವರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ವಸತಿ ಸಚಿವರ ಗಮನ ಸೆಳೆಯವುದು.

10.**ಶ್ರೀ ಎಂ. ರಾಜಣ್ಣ** ಇವರು – ಸ್ಥಳೀಯ ಶಾಸಕರ ಅಧ್ಯಕ್ಷತೆಯಲ್ಲಿ ಎಂ.ಎಸ್.ಐ.ಎಲ್. ಮದ್ಯದಂಗಡಿಗಳನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

11. **ಶ್ರೀ ಸಾ.ರಾ. ಮಹೇಶ್** ಇವರು – ಕೆ.ಆರ್. ನಗರ ವಿಧಾನಸಭಾ ಕ್ಷೇತ್ರದ ಮಿರ್ಲೆ ಹಾಗೂ ಸಾಲಿ ಗ್ರಾಮಗಳ ಬಿ.ಸಿ.ಎಂ. ವಸತಿ ನಿಲಯ ಕಟ್ಟಡ ನಿರ್ಮಾಣಕ್ಕೆ ಅನುದಾನ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

12. **ಶ್ರೀ ಜಿ.ಹೆಚ್. ಶ್ರೀನಿವಾಸ** ಇವರು – ತರೀಕೆರೆ ವಿಧಾನ ಸಭಾ ಕ್ಷೇತ್ರದ ಬಹುಗ್ರಾಮ ಕುಡಿಯುವ ನೀರು ಯೋಜನೆಗಳ ಬಗ್ಗೆ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆ ಸಚಿವರ ಗಮನ ಸೆಳೆಯುವುದು.

13. **ಶ್ರೀ ಎಂ.ಪಿ. ಅಪ್ಪಚ್ಚು (ರಂಜನ್)** ಇವರು – ಕೊಡಗು ಜಿಲ್ಲೆಯಲ್ಲಿ 94ಸಿ ಅಡಿಯಲ್ಲಿ ಈವರೆಗೆ ಸಲ್ಲಿಕೆಯಾದ ಅರ್ಜಿಗಳ ವಿಲೇವಾರಿ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

14. **ಶ್ರೀ ಗುರುಪಾಟೀಲ ಶಿರವಾಳ ಮತ್ತು ಶ್ರೀ ಯು.ಬಿ. ಬಣಕಾರ** ಇವರುಗಳು – ನಗರೋತ್ಥಾನ 3ನೇ ಹಂತದ ಯೋಜನೆ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ರಾಜ್ಯ ಸಚಿವರ ಗಮನ ಸೆಳೆಯುವುದು.

15. **ಶ್ರೀ ವಿ. ಸುನೀಲ್ ಕುಮಾರ್** ಇವರು – ಪರಿಸರ ರಕ್ಷಣೆಯಲ್ಲಿ ವಿಶ್ವಕ್ಕೆ ಮಾದರಿಯಾಗಿ ರಾಜ್ಯಕ್ಕೆ ಕೀರ್ತಿ ತಂದಿರುವ ಸಾಲುಮರದ ತಿಮ್ಮಕ್ಕ ಅವರ ಜೀವನ ನಿರ್ವಹಣೆಯ ಜವಾಬ್ದಾರಿ ಭರವಸೆಯನ್ನು ಈಡೇರಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

16. **ಶ್ರೀ ಎಸ್. ಸುರೇಶ್ ಕುಮಾರ್** ಇವರು – ಬೆಂಗಳೂರು ನಗರ ಜಿಲ್ಲೆ, ಉತ್ತರ ತಾಲ್ಲೂಕು ಬೆಟ್ಟ ಹಲಸೂರು ಗ್ರಾಮದ ಸರ್ವೆ ನಂ. 100ರಲ್ಲಿ ಸ್ಥಗಿತಗೊಳಿಸಿರುವ ಕಲ್ಲುಗಣಿ ಉದ್ಯಮವನ್ನು ಷರತ್ತಿಗೆ ಒಳಪಡಿಸಿ ಮರುಸ್ಥಾಪಿಸುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರ ಗಮನ ಸೆಳೆಯುವುದು.

17. **ಶ್ರೀ ಬಸವರಾಜ ನೀಲಪ್ಪ ಶಿವಣ್ಣನವರ** ಇವರು – 2017–18ನೇ ಶೈಕ್ಷಣಿಕ ವರ್ಷದಿಂದ ವಿದ್ಯಾರ್ಥಿಗಳನ್ನು ಶಾಲೆಗಳಲ್ಲಿ ಮೊದಲನೇ ತರಗತಿಗೆ ದಾಖಲಿಸಲು ಕಡ್ಡಾಯಗೊಳಿಸಿರುವ ವಯೋಮಿತಿಯಿಂದ ಆಗಬಹುದಾದ ಸಮಸ್ಯೆಗಳ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಅಲ್ಪ ಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

. . . 7

18. **ಶ್ರೀ ಸಿ.ಟಿ. ರವಿ** ಇವರು – ರಾಜ್ಯದಲ್ಲಿ ತೆಂಗು ಬೆಳೆಗಾರರ ಸಂಕಷ್ಟವನ್ನು ನೀಗಿಸಲು ನೀರಾ ನೀತಿ ಹಾಗೂ ನೀರಾವನ್ನು ಮಿತ ಪ್ರಮಾಣದಲ್ಲಿ ಕಟಾವು ಮಾಡಲು ಅನುಮತಿಸುವ ನಿಟ್ಟಿನಲ್ಲಿ ಸಂಬಂಧಪಟ್ಟ ಕಾಯ್ದೆಗೆ ತಿದ್ದುಪಡಿಗೊಳಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

19. **ಶ್ರೀ ಎಂ.ಜೆ. ಅಪ್ಪಾಜಿ** ಇವರು – ಭದ್ರಾವತಿಯಲ್ಲಿರುವ ವಿಶ್ವೇಶ್ವರಯ್ಯ ಕಬ್ಬಿಣ ಮತ್ತು ಉಕ್ಕಿನ ಕಾರ್ಖಾನೆಗೆ ಕಬ್ಬಿಣದ ಅದಿರನ್ನು ಪೂರೈಸಲು ಗಣಿಯನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರ ಗಮನ ಸೆಳೆಯುವುದು.

20. **ಶ್ರೀ ಜೆ.ಆರ್.ಲೋಬೋ** ಇವರು – ವಿದ್ಯಾರ್ಥಿನಿಲಯಗಳಿಗೆ, ಅನಾಥಾಶ್ರಮದ ಮಕ್ಕಳಿಗೆ, ಕಾನ್ವೆಂಟಿನ ಸಿಸ್ಟರ್‌ಗಳಿಗೆ, ಕುಷ್ಟರೋಗಿಗಳ ಮತ್ತು ಇನ್ನಿತರ ಅನಾಥಾಶ್ರಮಗಳಿಗೆ, ಈಶ್ವರೀಯ ಬ್ರಹ್ಮಕುಮಾರಿ ಸಂಸ್ಥೆಯವರಿಗೆ ಪಡಿತರ ಚೀಟಿಗಳು ಸಿಗದ ಕಾರಣ ಆಗಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

21. **ಶ್ರೀ ವೈ.ಎ. ನಾರಾಯಣ ಸ್ವಾಮಿ** ಇವರು – ಹೆಬ್ಬಾಳ ವಿಧಾನ ಸಭಾ ಕ್ಷೇತ್ರ ವ್ಯಾಪ್ತಿಯಲ್ಲಿನ ರಾಧಾಕೃಷ್ಣ ದೇವಸ್ಥಾನ ವಾರ್ಡ್ ನಂ. 18ರ ಕೊಳಚೆ ಪ್ರದೇಶದಲ್ಲಿ ಮೆ॥ ಪೆಬಲ್ ಬೈ ಡೆವಲಪರ್ಸ್ ಪ್ರೈ.ಲಿ., ನವರು ಕಾನೂನು ಬಾಹಿರವಾಗಿ ವಸತಿ ಸಮುಚ್ಚಯ ನಿರ್ಮಿಸಿರುವುದನ್ನು ತೆರವುಗೊಳಿಸುವ ಬಗ್ಗೆ ಮಾನ್ಯ ವಸತಿ ಸಚಿವರ ಗಮನ ಸೆಳೆಯುವುದು.

22. **ಡಾ॥ ನಾರಾಯಣಗೌಡ** ಇವರು – ಮಂಡ್ಯ ಜಿಲ್ಲೆ, ಕೆ.ಆರ್.ಪೇಟೆ ತಾಲ್ಲೂಕಿನ ಮುರುಕನ ಹಳ್ಳಿಯಲ್ಲಿ ನಡೆದ ಕೊಲೆ ಪ್ರಕರಣಕ್ಕೆ ಸಂಬಂಧಿಸಿದಂತೆ ಕರ್ತವ್ಯ ಲೋಪವೆಸಗಿರುವ ಡಿ.ವೈ.ಎಸ್.ಪಿ. ಅವರನ್ನು ಅಮಾನತ್ತುಗೊಳಿಸದೇ ಇರುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

23. **ಶ್ರೀ ಬಿ. ಸುರೇಶಗೌಡ** ಇವರು – ತುಮಕೂರು ತಾಲ್ಲೂಕು ಡಣನಾಯಕನಪುರ ಮತ್ತು ವದೇಕಲ್ಲು ಗ್ರಾಮಗಳಲ್ಲಿ ಅಕ್ರಮವಾಗಿ ಕಲ್ಲು ಗಣಿಗಾರಿಕೆ ನಡೆಸುತ್ತಿರುವ ಜಲ್ಲಿ ಕ್ರಷರ್ಸ್ ಮಾಲೀಕರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರ ಗಮನ ಸೆಳೆಯುವುದು.

24. **ಶ್ರೀ ಹೆಚ್. ಕೆ. ಕುಮಾರಸ್ವಾಮಿ** ಇವರು – ಹಾಸನ ತಾಲ್ಲೂಕಿನ ಕಟ್ಟಾಯ ಹೋಬಳಿಯ ವ್ಯಾಪ್ತಿಯಲ್ಲಿ ಯಗಚಿ ಜಲಾಶಯ ಯೋಜನೆಗೆ ಭೂ ಸ್ವಾಧೀನ ಪ್ರಕ್ರಿಯೆ ಪೂರ್ಣಗೊಳ್ಳದೇ ರೈತರು ಸಂಕಷ್ಟಕ್ಕೆ ಸಿಲುಕಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

...8

25.**ಶ್ರೀ ಸಿ.ಎನ್. ಬಾಲಕೃಷ್ಣ** ಇವರು – ಹಾಸನ ಜಿಲ್ಲೆಯ ಚನ್ನರಾಯಪಟ್ಟಣ ತಾಲ್ಲೂಕಿನ ಬಾಗೂರು ಹೋಬಳಿಯಲ್ಲಿರುವ ಸರ್ಕಾರಿ ಕೈಗಾರಿಕಾ ತರಬೇತಿ ಕೇಂದ್ರಕ್ಕೆ ಖಾಸಗಿಯವರು ನೀಡುವ ಜಮೀನಿಗೆ ಪರಿಹಾರ ನೀಡಿ ಸ್ವಂತ ಕಟ್ಟಡ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

26.**ಶ್ರೀ ಜೆ.ಆರ್. ಲೋಬೋ** ಇವರು – ಕೊಲ್ಲಿ ರಾಷ್ಟ್ರದ ಕತಾರ್ ದೇಶದಲ್ಲಿ ಕೆಲಸ ನಿರ್ವಹಿಸುವ ಅನಿವಾಸಿ ಭಾರತೀಯ ಕನ್ನಡಿಗರಿಗೆ NRI FORUM ಮುಖಾಂತರ ಪುನರ್ ವಸತಿ, ಪರಿಹಾರ ಹಾಗೂ ಇನ್ನಿತರ ವ್ಯವಸ್ಥೆಗಳನ್ನು ಕಲ್ಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

27.**ಶ್ರೀ ದೊಡ್ಡನಗೌಡ ಹೆಚ್. ಪಾಟೀಲ** ಇವರು – ಕುಷ್ಟಗಿ ಪಟ್ಟಣದ ವ್ಯಾಪ್ತಿಯಲ್ಲಿ ಕೈಗಾರಿಕೆ ವಸಾಹತು ಪ್ರಾರಂಭಿಸಲು ಭೂ ಸ್ವಾಧೀನಪಡಿಸಿಕೊಂಡ ರೈತರ ಜಮೀನುಗಳಿಗೆ ಮಾರುಕಟ್ಟೆ ದರದಲ್ಲಿ ಪರಿಹಾರವನ್ನು ಒದಗಿಸುವ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಹಾಗೂ ಮೂಲಭೂತ ಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

28.**ಶ್ರೀ ಎಂ. ಕೃಷ್ಣಾರೆಡ್ಡಿ** ಇವರು – ನಗರ ವ್ಯಾಪ್ತಿಯಿಂದ 5 ಕಿ.ಮೀ ನಲ್ಲಿ ಇರುವ ಜಮೀನುಗಳಿಗೆ ಬಗರ್–ಹುಕುಂ ಸಮಿತಿಯಲ್ಲಿ ನಮೂನೆ 50–53ರ ಅಡಿಯಲ್ಲಿ ಸಲ್ಲಿಸಿರುವ ಅರ್ಜಿದಾರರಿಗೆ ಜಮೀನು ಮಂಜೂರು ಮಾಡಿ ಸಾಗುವಳಿ ಚೀಟಿ ವಿತರಣೆ ಮಾಡಲು ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

29.**ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ, ಸಿ.ಎನ್. ಬಾಲಕೃಷ್ಣ ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹೊಳೆನರಸೀಪುರ ಸಾರ್ವಜನಿಕ ಕಟ್ಟಡದ ದುರಸ್ಥಿಗೆ ಅವಶ್ಯಕ ಅನುದಾನವನ್ನು ಬಿಡುಗಡೆಗೊಳಿಸುವುದು ಮತ್ತು ಅಲ್ಲಿನ ನೂತನ ಹೆರಿಗೆ ಆಸ್ಪತ್ರೆ ಕಟ್ಟದ ಮರುವಿನ್ಯಾಸ ಕಾಮಗಾರಿಗಳಿಗೆ ಅವಶ್ಯವಿರುವ ಅನುದಾನವನ್ನು ನಬಾರ್ಡ್ 23ರ ಯೋಜನೆಯಡಿ ಸೇರಿಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

30.**ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಹೆಚ್.ಡಿ. ರೇವಣ್ಣ, ಸಿ.ಎನ್. ಬಾಲಕೃಷ್ಣ ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನ ಜಿಲ್ಲಾ ವ್ಯಾಪ್ತಿಯಲ್ಲಿ ಅವ್ಯಾಹತವಾಗಿ ನಡೆದಿರುವ ಸೆಕೆಂಡ್ಸ್ ಮದ್ಯದ ಹಾವಳಿಯನ್ನು ತಡೆದು ಎಂ.ಎಸ್.ಐ.ಎಲ್. ವತಿಯಿಂದ ಮದ್ಯದ ಅಂಗಡಿಗಳನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

. . . 9

31. **ಶ್ರೀಯುತರುಗಳಾದ ಸಿ.ಎನ್. ಬಾಲಕೃಷ್ಣ, ಹೆಚ್.ಡಿ. ರೇವಣ್ಣ, ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನ ಜಿಲ್ಲೆ ಉಲಿವಾಲ ಗ್ರಾಮದ ಸರ್ವೆ ನಂ.20ರಲ್ಲಿ ನರ್ಸರಿ ಫಾರಂ ನಿರ್ಮಾಣಕ್ಕಾಗಿ ರೂ.100 ಲಕ್ಷಗಳ ಅನುದಾನವನ್ನು ಮತ್ತು ಹೇಮಾವತಿ ನದಿಗೆ ಅಡ್ಡಲಾಗಿ ಕಟ್ಟಿರುವ 02 ಸೇತುವೆಗಳ ನಡುವಿನ ಸರ್ಕಾರಿ ಜಾಗದಲ್ಲಿ ಉದ್ಯಾನವನ್ನು ನಿರ್ಮಿಸುವ ಕಾಮಗಾರಿಗೆ ರೂ.50 ಲಕ್ಷಗಳ ಅನುದಾನವನ್ನು ಬಿಡುಗಡೆಗೊಳಿಸುವ ಬಗ್ಗೆ ಮಾನ್ಯ ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರ ಗಮನ ಸೆಳೆಯುವುದು.

32. **ಶ್ರೀ ವಿ. ಸುನೀಲ್ ಕುಮಾರ್** ಇವರು – ರಾಜ್ಯದಲ್ಲಿ ಸರ್ಕಾರಿ ಜಮೀನುಗಳನ್ನು ಅವೈಜ್ಞಾನಿಕವಾಗಿ ಡೀಮ್ಡ್ ಫಾರೆಸ್ಟ್ ಪಟ್ಟಿಗೆ ಸೇರಿಸಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗಿರುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

33. **ಶ್ರೀ ಗೋವಿಂದ ಎಂ. ಕಾರಜೋಳ** ಇವರು – ಬೆಂಗಳೂರು ದಕ್ಷಿಣ ತಾಲ್ಲೂಕು, ಕೆಂಗೇರಿ ಹೋಬಳಿ, ದೊಡ್ಡಬೆಲೆ ಗ್ರಾಮದ ಸರ್ಕಾರಿ ಜಮೀನಿನಲ್ಲಿ ಗುಡಿಸಲು ನಿರ್ಮಿಸಿಕೊಂಡು ವಾಸಿಸುತ್ತಿರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಬಡ ಕುಟುಂಬದವರಿಗೆ ನ್ಯಾಯ ಒದಗಿಸಿಕೊಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

34. **ಶ್ರೀ ಮುನಿರತ್ನ** ಇವರು – ರಾಜರಾಜೇಶ್ವರಿನಗರ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಸರ್ಕಾರಿ ಸ್ವತ್ತಿನಲ್ಲಿ ಅನಧಿಕೃತವಾಗಿ ವಾಸಿಸುತ್ತಿರುವ ಮನೆಗಳನ್ನು ಸಕ್ರಮಗೊಳಿಸುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

35. **ಶ್ರೀ ಬಿ.ಬಿ. ನಿಂಗಯ್ಯ** ಇವರು – ಮೂಡಿಗೆರೆ ತಾಲ್ಲೂಕಿನಲ್ಲಿ ಮಲೆನಾಡು ಸರ್ಕ್ಯೂಟ್ ಯೋಜನೆಗೆ ಅಪೂರ್ಣಗೊಂಡಿರುವ ಕಟ್ಟಡವನ್ನು ಪೂರ್ಣಗೊಳಿಸಲು ಹೆಚ್ಚಿನ ಅನುದಾನವನ್ನು ಬಿಡುಗಡೆಗೊಳಿಸುವ ಬಗ್ಗೆ ಮಾನ್ಯ ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ಪ್ರವಾಸೋದ್ಯಮ ರಾಜ್ಯ ಸಚಿವರ ಗಮನ ಸೆಳೆಯುವುದು.

36. **ಶ್ರೀ ಬಿ. ಸುರೇಶಗೌಡ ಇವರು** – ತುಮಕೂರು ವ್ಯಾಪ್ತಿಯ ಬುಗಡನ ಹಳ್ಳಿಯ ಕೆರೆಯಿಂದ ದೇವರಾಯಪಟ್ಟಣ ಮೂಲಕ ಮೈದಾಳ ಕೆರೆಯಲ್ಲಿ ನೀರು ಸಂಗ್ರಹಸಿ ಕೈಗಾರಿಕಾ ಪ್ರದೇಶಗಳಿಗೆ ನೀರು ಪೂರೈಸುವ ಯೋಜನೆಯನ್ನು ಪೂರ್ಣಗೊಳಿಸುವ ಬಗ್ಗೆ ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಹಾಗೂ ಮೂಲಭೂತ ಸೌಲಭ್ಯ ಅಭಿವೃದ್ಧಿ ಸಚಿವರ ಗಮನ ಸೆಳೆಯುವುದು.

37. **ಶ್ರೀ ಹೆಚ್.ಕೆ. ಕುಮಾರಸ್ವಾಮಿ** ಇವರು – ರಾಷ್ಟ್ರೀಯ ಹೆದ್ದಾರಿಯಿಂದ ಹಾಸನ ಜಿಲ್ಲೆ ಸಕಲೇಶಪುರ ನೂತನ ಬಸ್ ನಿಲ್ದಾಣಕ್ಕೆ ಸಂಪರ್ಕ ಕಲ್ಪಿಸುವ ರಸ್ತೆಯನ್ನು ದುರಸ್ತಿಪಡಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

. . . 10

38.**ಶ್ರೀ ಗುರು ಪಾಟೀಲ ಶಿರವಾಳ** ಇವರು – ಯಾದಗಿರಿ ಜಿಲ್ಲೆ ಸುರಪುರದ ನಾಗನೂರ ವಿ.ಎಸ್.ಎಸ್. ಬ್ಯಾಂಕ್ ಕಾರ್ಯದರ್ಶಿಯವರು ಹಣ ದುರುಪಯೋಗ ಮಾಡಿಕೊಂಡಿದ್ದರೂ ಅವರ ವಿರುದ್ಧ ಈವರೆವಿಗೂ ಯಾವುದೇ ಕ್ರಮ ಕೈಗೊಳ್ಳದಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

39.**ಶ್ರೀ ಅರವಿಂದ ಲಿಂಬಾವಳಿ** ಇವರು – ಸಿದ್ಧಾಪುರ ಗ್ರಾಮ ಬೆಂಗಳೂರು ಪೂರ್ವ ತಾಲ್ಲೂಕು ವರ್ತೂರು ಹೋಬಳಿ ಸರ್ವೆ ನಂ.3/1ಎಪಿ/1ರ ಜಮೀನನ್ನು ಆಸ್ಪತ್ರೆ ನಿರ್ಮಾಣ ಮಾಡಲು ಬಿ.ಎಂ.ಟಿ.ಸಿ ಯಿಂದ ಆರೋಗ್ಯ ಇಲಾಖೆಗೆ ಹಸ್ತಾಂತರಿಸದೇ ಇರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

40.**ಶ್ರೀ ಎಂ. ಪಿ. ಅಪ್ಪಚ್ಚು (ರಂಜನ್)** ಇವರು – ಕೊಡಗು ಜಿಲ್ಲೆಯಲ್ಲಿ ಹೊಸದಾಗಿ ಆರಂಭಗೊಂಡಿರುವ ಮೆಡಿಕಲ್ ಕಾಲೇಜಿಗೆ ಅಗತ್ಯ ಮೂಲಭೂತ ಸೌಲಭ್ಯಗಳನ್ನು ಕಲ್ಪಿಸದೇ, ಕಟ್ಟಡ ನಿರ್ಮಾಣ ಮಾಡಿರುವ ಹಾಗೂ ಕಾಲಮಿತಿಯೊಳಗೆ ಕಾಮಗಾರಿಯನ್ನು ಪೂರ್ಣಗೊಳಿಸದೇ ಇರುವ ಗುತ್ತಿಗೆದಾರರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಹಾಗೂ ಅಗತ್ಯ ಮೂಲಭೂತ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

41.**ಶ್ರೀ ಬಿ.ಬಿ. ನಿಂಗಯ್ಯ** ಇವರು – ಮೂಡಿಗೆರೆ ತಾಲ್ಲೂಕಿನ ಕಳಸ ಪಟ್ಟಣದ ಮಹಾವೀರ ರಸ್ತೆಯ ದುರಸ್ತಿ ಮತ್ತು ಅಭಿವೃದ್ಧಿಗೆ ರೂ.75.00 ಲಕ್ಷಗಳನ್ನು ಮಂಜೂರು ಮಾಡಿದ್ದರೂ ಇದುವರೆವಿಗೂ ಅನುದಾನ ಬಿಡುಗಡೆ ಮಾಡದೇ ಇರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯವುದು.

42.**ಡಾ॥ ಅಶ್ವತ್‌ನಾರಾಯಣ್ ಸಿ.ಎನ್.** ಇವರು – ಕಾರ್ಯಕಾರಿ ನಿರ್ದೇಶಕರು, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ ಇವರು ಸರ್ಕಾರದ ಲಕ್ಷಾಂತರ ರೂಗಳನ್ನು ದುರುಪಯೋಗಪಡಿಸಿಕೊಂಡಿರುವುದರಿಂದ ಇವರ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಕುರಿತು ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

## 7. ಅರ್ಧ ಗಂಟೆ ಕಾಲಾವಧಿ ಚರ್ಚೆ

1. **ಶ್ರೀ ಹೆಚ್. ಎಸ್. ಪ್ರಕಾಶ್ ಮತ್ತು ಶ್ರೀ ಹೆಚ್.ಡಿ. ರೇವಣ್ಣ** ಇವರುಗಳು – "ಕೆ.ಐ.ಎ.ಡಿ.ಬಿ. ವತಿಯಿಂದ ಹಾಸನ ಜಿಲ್ಲೆಯಲ್ಲಿ ಎಸ್.ಇ. ಝಡ್ ಯೋಜನೆಯಡಿ ವಿವಿಧ ಕೈಗಾರಿಕಾ ಉದ್ಯಮಗಳನ್ನು ಸ್ಥಾಪಿಸಲು ಮಂಜೂರಾದ ಭೂಮಿಯಲ್ಲಿ ನಿಯಮಾವಳಿಗಳ ರೀತ್ಯ ಉದ್ಯಮಗಳನ್ನು ಸ್ಥಾಪಿಸದೆ ಇರುವವರ ವಿರುದ್ಧ ಕ್ರಮ ಕೈಗೊಳ್ಳುವುದರ ಬಗ್ಗೆ" ದಿನಾಂಕ: 06.06.2017ರ ಗಮನ ಸೆಳೆಯುವ ಸೂಚನೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

. . . 11

2. **ಶ್ರೀ ಜೆ.ಆರ್. ಲೋಬೋ** ಇವರು – "ರಾಜ್ಯದ ಕರಾವಳಿ ಮತ್ತು ಮಲೆನಾಡು ಜಿಲ್ಲೆಗಳಲ್ಲಿ ಗ್ರಾಮೀಣಾಭಿವೃದ್ಧಿ ಇಲಾಖೆಯು ತಂದಿರುವ ನಮೂನೆ-9 ಮತ್ತು 11 ರಿಂದ ಆಗುತ್ತಿರುವ ತೊಂದರೆಯನ್ನು ನೀಗಿಸುವ ಬಗ್ಗೆ" ದಿನಾಂಕ: 06.06.2017ರ ಗಮನ ಸೆಳೆಯುವ ಸೂಚನೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3. **ಶ್ರೀ ಹೆಚ್.ಕೆ. ಕುಮಾರಸ್ವಾಮಿ** ಇವರು – "ದಿನಾಂಕ:04.06.2017ರಂದು ಸಕಲೇಶಪುರ ತಾಲ್ಲೂಕಿನಲ್ಲಿ ಆನೆ ದಾಳಿಯಿಂದ ರೈತನೋರ್ವ ಸಾವನ್ನಪ್ಪಿದ್ದು ಸೇರಿದಂತೆ, ಆನೆ ದಾಳಿಯಿಂದ ಪ್ರಾಣ, ಆಸ್ತಿ, ಹಾನಿ ತಡೆಯಲು ಆನೆ ಕಾರಿಡಾರ್ ಯೋಜನೆ ಮತ್ತು ಇತರೆ ಪರಿಹಾರ ನೀಡುವ ಬಗ್ಗೆ" ದಿನಾಂಕ: 06.06.2017ರಂದು ಶೂನ್ಯವೇಳೆಯಲ್ಲಿ ಪ್ರಸ್ತಾಪಿಸಿದ ವಿಷಯ ಹಾಗೂ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

4. **ಶ್ರೀ ಮೋಹಿಯುದ್ದಿನ್ ಬಾವಾ ಬಿ.ಎ. ಇವರು** – "ಬಿ.ಪಿ.ಎಲ್. ಪಡಿತರ ಚೀಟಿ ವಿತರಣೆ ಕುರಿತು" ದಿನಾಂಕ: 08.06.2017ರಂದು ಸದನದಲ್ಲಿ ಉತ್ತರಿಸುವ 4ನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 55 (994)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಎಸ್. ಮೂರ್ತಿ**
ಕಾರ್ಯದರ್ಶಿ(I/c)

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm